ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ಪ್ರವಾಸಿ ತಾಣಗಳನ್ನು ಅಭಿವೃದ್ಧಿ ಪಡಿಸುವ ಬಗ್ಗೆ

ಶ್ರೀ ಆರ್.ಬಿ. ತಿಮ್ಮಾಪೂರ (ವಿಧಾನ ಸಭೆಯಿಂದ ಚುನಾಯಿತರಾದವರು):-

701 (718) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಚಾಮರಾಜನಗರ ಜಿಲ್ಲೆಯ ಭರಚುಕ್ಕಿ ಜಲಪಾತ ಮತ್ತು ಮಂಡ್ಯ ಜಿಲ್ಲೆಯಲ್ಲಿರುವ ಗಗನಚುಕ್ಕಿ ಜಲಪಾತಗಳು ಪ್ರವಾಸಿಗರ ಆಕರ್ಷಿಣೀಯ ತಾಣಗಳಾಗಿ ಈ ತಾಣಗಳಿಗೆ ಪ್ರತಿನಿತ್ಯ ಸಾವಿರಾರು ಪ್ರವಾಸಿಗರು ಭೇಟಿ ನೀಡುವುದರಿಂದ ಪ್ರವಾಸಿಗರ ಅನುಕೂಲಕ್ಕಾಗಿ ಹೆಚ್ಚುವರಿ ಪ್ರವಾಸಿ ಸೌಲಭ್ಯಗಳನ್ನು ರೂ.5.00 ಕೋಟಿ ವೆಚ್ಚದಲ್ಲಿ ಕೈಗೊಳ್ಳಲು ಉದ್ದೇಶಿಸಿ 2018-19ನೇ ಆಯವ್ಯಯದಲ್ಲಿ ಮಂಡಿಸಿರುವುದು ಸರ್ಕಾರದ ಗಮನದಲ್ಲಿದೆಯೇ;

(ಆ) ಈ ಸೌಲಭ್ಯಗಳನ್ನು ಅನುಷ್ಠಾನಕ್ಕೆ ತರಲಾಗಿದೆಯೇ ;

(ಇ) ಈ ಸೌಲಭ್ಯ ಇದುವರೆಗೂ ಅನುಷ್ಠಾನಕ್ಕೆ ತರದೆ ಇದ್ದಲ್ಲಿ, ಯಾವಾಗ ಅನುಷ್ಠಾನಕ್ಕೆ ತರಲಾಗುವುದು ; ಈ ಬಗ್ಗೆ ಸಂಪೂರ್ಣ ಮಾಹಿತಿ ನೀಡುವುದು ?